ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 28 ನೇ ಸೆಪ್ಟೆಂಬರ್, 2020

ರಾಜ್ಯದಲ್ಲಿ ವ್ಯಾಸಂಗ ಮಾಡುತ್ತಿರುವ ವಿದೇಶಿ ವಿದ್ಯಾರ್ಥಿಗಳ ಬಗ್ಗೆ

ಶ್ರೀ ಕೆ. ಗೋವಿಂದರಾಜ್ (ವಿಧಾನಸಭೆಯಿಂದ ಚುನಾಯಿತರಾದವರು) :-

770 (984) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದಲ್ಲಿರುವ ಎಲ್ಲಾ ಖಾಸಗಿ ಕಾಲೇಜು ವಿಶ್ವವಿದ್ಯಾನಿಲಯಗಳಲ್ಲಿ ಎಷ್ಟು ವಿದೇಶಿ ವಿದ್ಯಾರ್ಥಿಗಳು ವ್ಯಾಸಂಗ ಮಾಡುತ್ತಿದ್ದಾರೆ ; (ಸಂಪೂರ್ಣ ವಿವರ ಒದಗಿಸುವುದು)

(ಆ) ಇವರುಗಳು ಯಾವ ವೀಸಾದಡಿಯಲ್ಲಿ ಎಷ್ಟು ಅವಧಿಯಿಂದ ವ್ಯಾಸಂಗ ಮಾಡುತ್ತಿರುತ್ತಾರೆ ; (ಸಂಪೂರ್ಣ ಮಾಹಿತಿ ಒದಗಿಸುವುದು)

(ಇ) ಕಳೆದ ಆರು ವರ್ಷಗಳಲ್ಲಿ ಎಷ್ಟು ವಿದೇಶಿ ವಿದ್ಯಾರ್ಥಿಗಳು ವ್ಯಾಸಂಗ ಪೂರೈಸಿ ವಾಪಸ್ಸು ತೆರಳಿರುತ್ತಾರೆ ಮತ್ತು ಎಷ್ಟು ವಿದ್ಯಾರ್ಥಿಗಳು ಅವಧಿ ಮೀರಿ ಇಲ್ಲಿಯೇ ಇದ್ದಾರೆ ? (ಸಂಪೂರ್ಣ ವಿವರಗಳನ್ನು ಒದಗಿಸುವುದು)